


# ಕರ್ನಾಟಕ ವಿಧಾನಪರಿಷತ್ತು

ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 15-03-2021 ಪ್ರಶ್ನೆ ಸಂಖ್ಯೆ : 1010(1331)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಕೆ. ಪ್ರತಾಪಚಂದ್ರ ಶೆಟ್ಟಿ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 15-03-2021

ಉತ್ತರಿಸುವ ಸಚಿವರು: ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರು

ವಿಷಯ : ವೈದ್ಯಕೀಯ ವೆಚ್ಚವನ್ನು ಭರಿಸುವ ಯೋಜನೆಗಳ ಕುರಿತು

(ಅ) ರಾಜ್ಯದಲ್ಲಿ ಬಿಪಿಎಲ್ ಮತ್ತು ಎಪಿಎಲ್ ಕಾರ್ಡುದಾರರಿಗೆ ಇರುವ ವೈದ್ಯಕೀಯ ವೆಚ್ಚ ಭರಿಸುವ ಯೋಜನೆಗಳು ಯಾವುವು; (ಯೋಜನೆವಾರು ಮಾಹಿತಿ ನೀಡುವುದು)

(ಆ) ಆಯುಷ್ಮಾನ್ ಕಾರ್ಡ್‌ನಲ್ಲಿ ಯಾವ ಯಾವ ಖಾಯಿಲೆಗಳಿಗೆ ಚಿಕಿತ್ಸಾ ವೆಚ್ಚವನ್ನು ಭರಿಸಲಾಗುತ್ತಿದೆ; ರೋಗಿಯು ತುರ್ತು ಸಂದರ್ಭದಲ್ಲಿ ನೇರವಾಗಿ ಖಾಸಗಿ ಆಸ್ಪತ್ರೆಗೆ ಒಳರೋಗಿಯಾಗಿ ದಾಖಲಾಗಿರುವಾಗ ಅವರ ಚಿಕಿತ್ಸಾ ವೆಚ್ಚವನ್ನು ಭರಿಸಲು ಯಾವ ಕ್ರಮ ವಹಿಸಲಾಗುತ್ತಿದೆ; ಅಂತಹ ಸಂದರ್ಭದಲ್ಲಿ ರೆಫರಲ್ ಪತ್ರದಿಂದ ವಿನಾಯಿತಿ ನೀಡಲಾಗಿದೆಯೇ;

(ಇ) ಆಯುಷ್ಮಾನ್ ಕಾರ್ಡ್‌ನಲ್ಲಿ ಖಾಸಗಿ ಆಸ್ಪತ್ರೆಯಲ್ಲಿ ಹೆರಿಗೆಯಾದ ನಂತರ ನವಜಾತ ಶಿಶುವಿನ ಚಿಕಿತ್ಸೆಗೆ ಅವಕಾಶವಿಲ್ಲದಿರುವುದು ನಿಜವೇ ಇದರಿಂದ ರೋಗಿಗಳಿಗೆ ಅರ್ಹತೆಯನ್ನು ಹೊಂದಿದ್ದರೂ ಆರ್ಥಿಕ ಹೊರೆಯನ್ನು ಅನುಭವಿಸುತ್ತಿರುವುದನ್ನು ತಪ್ಪಿಸಲು ಸರ್ಕಾರದ ಕ್ರಮವೇನು?